# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಮೊದಲನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಶುಕ್ರವಾರ, ದಿನಾಂಕ 7ನೇ ಜೂನ್, 2013
(ಸಮಯ: ಬೆಳಗ್ಗೆ 10.00 ಗಂಟೆಗೆ)

-----

### 1. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

**ಕಾರ್ಯದರ್ಶಿಯವರು:-**

ಅ) 13ನೇ ವಿಧಾನಸಭೆಯ ಮಹಿಳಾ ಮತ್ತು ಮಕ್ಕಳ ಕಲ್ಯಾಣ ಸಮಿತಿಯ 25ನೇ ವರದಿಯನ್ನು ಸಭೆಯ ಮುಂದಿಡುವುದು.

ಆ) 13ನೇ ವಿಧಾನಸಭೆಯ ಹಕ್ಕುಬಾಧ್ಯತಾ ಸಮಿತಿಯ 6ನೇ ವರದಿಯನ್ನು ಸಭೆಯ ಮುಂದಿಡುವುದು.

ಇ) ಲೋಕೋಪಯೋಗಿ ಇಲಾಖೆಯಿಂದ ಕಾಮಗಾರಿಗಳಿಗಾಗಿ ಟೆಂಡರ್ ಕರೆಯುವಲ್ಲಿ ನಿಯಮಗಳ ಉಲ್ಲಂಘನೆಯಾಗಿರುವ ಬಗ್ಗೆ ವಿಚಾರಣೆ ನಡೆಸಿ ವರದಿಯನ್ನು ಸಲ್ಲಿಸಲು 13ನೇ ವಿಧಾನಸಭೆಯಲ್ಲಿ ರಚಿಸಲಾಗಿದ್ದ ಸದನ ಸಮಿತಿಯ ವರದಿಯನ್ನು ಸಭೆಯ ಮುಂದಿಡುವುದು.

ಈ) ರಾಜ್ಯದಲ್ಲಿರುವ ಹಾಗೂ ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಬರುವ ಕ್ಲಬ್‌ಗಳ ಕಾರ್ಯವೈಖರಿಯ ಬಗ್ಗೆ ಪರಿಶೀಲಿಸಿ ವರದಿಯನ್ನು ಸಲ್ಲಿಸಲು ರಚಿಸಲಾಗಿದ್ದ 13ನೇ ವಿಧಾನಸಭೆಯ ಸದನ ಸಮಿತಿಯ ಮಧ್ಯಂತರ ವರದಿಯನ್ನು ಸಭೆಯ ಮುಂದಿಡುವುದು.

### 2. ಘನತೆವೆತ್ತ ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

ಶ್ರೀ ಬಸವರಾಜ ರಾಯರೆಡ್ಡಿ, ಅವರು ದಿನಾಂಕ: 04ನೇ ಜೂನ್, 2013ರಂದು ಸೂಚಿಸಿದ ಕೆಳಕಂಡ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ.

"2013ರ ಜೂನ್, 3ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಘನತೆವೆತ್ತ ರಾಜ್ಯಪಾಲರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ"

ಪು.ತಿ.ನೋ.,

**3. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ**

1. ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಹೆಚ್.ಡಿ. ರೇವಣ್ಣ, ಕೆ.ಎಂ. ಶಿವಲಿಂಗೇಗೌಡ, ಎ.ಬಿ. ರಮೇಶ್ ಬಂಡಿಸಿದ್ದೇಗೌಡ, ವೈ.ಎಸ್.ವಿ. ದತ್ತ, ಸಿ.ಎನ್ ಬಾಲಕೃಷ್ಣ ಅವರುಗಳು ರಾಜ್ಯದಲ್ಲಿ ತೀವ್ರತರವಾದ ಬರಗಾಲದಿಂದಾಗಿ ತೆಂಗು ಬೆಳೆ ಸಂಪೂರ್ಣ ನಾಶವಾಗಿರುವುದರಿಂದ ಹಾಗೂ ತೆಂಗು ಉತ್ಪನ್ನಗಳ ಬೆಲೆಗಳು ಕುಸಿದಿರುವುದರಿಂದ ರೈತರಿಗೆ ಉಂಟಾಗಿರುವ ತೊಂದರೆಯ ಕುರಿತು ನೀಡಿರುವ ಸೂಚನೆಯ ಬಗ್ಗೆ ಚರ್ಚೆ.

2. ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಹೆಚ್.ಡಿ. ರೇವಣ್ಣ, ಕೆ.ಎಂ. ಶಿವಲಿಂಗೇಗೌಡ, ವೈ.ಎಸ್.ವಿ. ದತ್ತ, ಸಿ.ಎನ್ ಬಾಲಕೃಷ್ಣ, ಸಿ.ಬಿ ಸುರೇಶ್ ಬಾಬು ಹಾಗೂ ಇತರರು ರಾಜ್ಯದಲ್ಲಿ ಹಲವಾರು ತಾಲ್ಲೂಕುಗಳನ್ನು ಬರಗಾಲಪೀಡಿತ ತಾಲ್ಲೂಕುಗಳೆಂದು ಸರ್ಕಾರವು ಘೋಷಿಸಿದ್ದು, ಕುಡಿಯುವ ನೀರಿಗೆ ತೀವ್ರ ತೊಂದರೆಯುಂಟಾಗಿರುವುದರಿಂದ ತುರ್ತು ಕ್ರಮ ಕೈಗೊಳ್ಳುವಲ್ಲಿ ವಿಫಲವಾಗಿರುವ ವಿಚಾರದಲ್ಲಿ ನೀಡಿರುವ ಸೂಚನೆಯ ಬಗ್ಗೆ ಚರ್ಚೆ.

**ಪಿ.ಓಂಪ್ರಕಾಶ**
ಕಾರ್ಯದರ್ಶಿ

*Raj N*

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
(www.kar.nic.in/kla)